ಸದನದಲ್ಲಿ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಶುಕ್ರವಾರ, ದಿನಾಂಕ : 26ನೇ ಜುಲೈ, 2019

ಅನ್ವರ್ ಮಾನಿಪ್ಪಾಡಿ ವರದಿಯ ಕುರಿತು

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

140 (745) ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳು, ಅಲ್ಪಸಂಖ್ಯಾತರ ಕಲ್ಯಾಣ ಹಾಗೂ ವಕ್ಫ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ವಕ್ಫ್ ಮಂಡಳಿಯ ಸ್ಥಿರಾಸ್ತಿ ಕಬಳಿಕೆಗೆ ಸಂಬಂಧಿಸಿದಂತೆ ರಾಜ್ಯ ಅಲ್ಪಸಂಖ್ಯಾತರ ಆಯೋಗದ ನಿಕಟಪೂರ್ವ ಅಧ್ಯಕ್ಷ ಅನ್ವರ್ ಮಾನಿಪ್ಪಾಡಿ ವರದಿಯನ್ನು ಸರ್ಕಾರಕ್ಕೆ ಯಾವ ವರ್ಷದಲ್ಲಿ ಸಲ್ಲಿಸಲಾಗಿದೆ ;

(ಆ) ಈ ವರದಿಯ ಶಿಫಾರಸ್ಸುಗಳನ್ನು ಸದನದಲ್ಲಿ ಮಂಡಿಸದಿರಲು ಕಾರಣಗಳೇನು;

(ಇ) ನ್ಯಾಯಾಲಯದ ಆದೇಶದ ಹೊರತಾಗಿಯೂ ಈ ವರದಿಯನ್ನು ಸದನದಲ್ಲಿ ಮಂಡಿಸಲು ಸರ್ಕಾರ ವಿಳಂಬ ಮಾಡುತ್ತಿದೆ ಎಂದು ಆರೋಪಿಸಿ ಮಾಜಿ ಸಚಿವರು ಸಲ್ಲಿಸಿರುವ ನ್ಯಾಯಾಂಗ ನಿಂದನೆ ಅರ್ಜಿ ವಿಚಾರಣೆ ನಡೆಸಿದ ಉಚ್ಚ ನ್ಯಾಯಾಲಯವು ಸರ್ಕಾರಕ್ಕೆ ಮುಂಬರುವ ಅಧಿವೇಶನದಲ್ಲಿ ವರದಿಯನ್ನು ಮಂಡಿಸಲು ಆದೇಶ ನೀಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಈ) ಬಂದಿದ್ದಲ್ಲಿ, ಈ ವರದಿಯನ್ನು ಯಾವಾಗ ಸದನದಲ್ಲಿ ಮಂಡಿಸಲಾಗುವುದು?